# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 1259

ಉತ್ತರಿಸಬೇಕಾದ ದಿನಾಂಕ : 21.12.2018.

ಸದಸ್ಯರ ಹೆಸರು : ಶ್ರೀ ಐವನ್ ಡಿ'ಸೋಜಾ (ನಾಮ ನಿರ್ದೇಶನ ಹೊಂದಿದವರು)

ಉತ್ತರಿಸುವ ಸಚಿವರು : ಮಾನ್ಯ ಉಪ ಮುಖ್ಯಮಂತ್ರಿಗಳು

| ಕ್ರಸ | ಪ್ರಶ್ನೆ | ಉತ್ತರ |
|---|---|---|
| ಅ) | ದಕ್ಷಿಣ ಕನ್ನಡ ಜಿಲ್ಲೆಯಲ್ಲಿ ಅಂತರರಾಷ್ಟ್ರೀಯ ಮಟ್ಟದ ಕ್ರೀಡಾಂಗಣ ನಿರ್ಮಿಸಲು ಸ್ಥಳವನ್ನು ಮೀಸಲಿಡಲಾಗಿದ್ದು ಈ ಬಗ್ಗೆ ಸರ್ಕಾರ ಯಾವ ಕ್ರಮ ಕೈಗೊಳ್ಳಲಾಗಿದೆ; | ದಕ್ಷಿಣ ಕನ್ನಡ ಜಿಲ್ಲೆಯ ಮಂಗಳೂರಿನ ಮಂಗಳಾ ಕ್ರೀಡಾಂಗಣದಲ್ಲಿ ಅಂತರರಾಷ್ಟ್ರೀಯ ಗುಣಮಟ್ಟದ ಸಿಂಥೆಟಿಕ್ ಅಥ್ಲೆಟಿಕ್ ಟ್ರ್ಯಾಕ್ ಅಳವಡಿಸಲಾಗಿದೆ. ಪ್ರತ್ಯೇಕವಾಗಿ ಅಂತರರಾಷ್ಟ್ರೀಯ ಮಟ್ಟದ ಕ್ರೀಡಾಂಗಣ ನಿರ್ಮಿಸುವ ಬಗ್ಗೆ ಇದುವರೆಗೆ ಯುವ ಸಬಲೀಕರಣ ಮತ್ತು ಕ್ರೀಡಾ ಇಲಾಖೆಗೆ ಅಗತ್ಯ ನಿವೇಶನ ಹಸ್ತಾಂತರವಾಗಿರುವುದಿಲ್ಲ. ಈ ಎಲ್ಲಾ ಅಂಶಗಳ ಹಿನ್ನೆಲೆಯಲ್ಲಿ, ಅಂತರರಾಷ್ಟ್ರೀಯ ಮಟ್ಟದ ಕ್ರೀಡಾಂಗಣವನ್ನು ನಿರ್ಮಿಸುವ ಪ್ರಸ್ತಾವನೆ ಪ್ರಸ್ತುತ ಸರ್ಕಾರದ ಮುಂದಿರುವುದಿಲ್ಲ. |
| ಆ) | ಅಂತರರಾಷ್ಟ್ರೀಯ ಮಟ್ಟದಲ್ಲಿ ಕ್ರಿಕೆಟ್‌ನಲ್ಲಿ ಸ್ಥಾನ ಪಡೆದ ದಕ್ಷಿಣ ಕನ್ನಡ ಜಿಲ್ಲೆಯ ಕೆ.ಎಲ್. ರಾಹುಲ್ ರವರ ಹೆಸರಿನಲ್ಲಿ ಈ ಕ್ರೀಡಾಂಗಣ ಸ್ಥಾಪಿಸಲು ಸರ್ಕಾರ ಕ್ರಮ ಕೈಗೊಳ್ಳುವುದೇ; | ಪ್ರಸ್ತುತ ಇಂತಹ ಯಾವುದೇ ಪ್ರಸ್ತಾವನೆ ಸರ್ಕಾರದ ಮುಂದಿರುವುದಿಲ್ಲ. |
| ಇ) | ಮಂಗಳೂರಿನಲ್ಲಿ ಕ್ರಿಕೆಟ್ ಆಟಗಾರರನ್ನು ಪ್ರೋತ್ಸಾಹಿಸಲು ಮತ್ತು ತರಬೇತಿಗೊಳಿಸಲು ಇಲಾಖಾ ವತಿಯಿಂದ ಟರ್ಫ್ ಕ್ರಿಕೆಟ್ ಪಿಚ್‌ನ್ನು ಅಳವಡಿಸಲು ಇಲಾಖೆ ಕ್ರಮ ಕೈಗೊಳ್ಳುವುದೇ; | ಮಂಗಳೂರಿನಲ್ಲಿ ಕ್ರಿಕೆಟ್ ಆಟಗಾರರನ್ನು ಪ್ರೋತ್ಸಾಹಿಸಲು ಮತ್ತು ತರಬೇತಿಗೊಳಿಸಲು ಇಲಾಖಾ ವತಿಯಿಂದ ಟರ್ಫ್ ಕ್ರಿಕೆಟ್ ಪಿಚ್‌ನ್ನು ಅಳವಡಿಸುವ ಪ್ರಸ್ತಾವನೆ ಪ್ರಸ್ತುತ ಸರ್ಕಾರದ ಮುಂದಿರುವುದಿಲ್ಲ. |
| ಈ) | ಮಂಗಳೂರು ನಗರದಲ್ಲಿ ಸ್ಪೋರ್ಟ್ಸ್ ವಿಲೇಜನ್ನು ಸ್ಥಾಪಿಸಲು ಮತ್ತು ಸ್ಪೋರ್ಟ್ಸ್ & ಗೇಮ್ಸ್‌ಗಳಲ್ಲಿ ವಿದ್ಯಾರ್ಥಿಗಳಿಗೆ ತರಬೇತಿ ನೀಡಲು ಸರ್ಕಾರ ಯಾವೆಲ್ಲ ಕ್ರಮ ಕೈಗೊಳ್ಳುತ್ತಿದೆ? (ವಿವರ ಒದಗಿಸುವುದು) | ಮಂಗಳೂರು ನಗರದಲ್ಲಿ ಸ್ಪೋರ್ಟ್ಸ್ ವಿಲೇಜನ್ನು ಸ್ಥಾಪಿಸುವ ಪ್ರಸ್ತಾವನೆ ಪ್ರಸ್ತುತ ಸರ್ಕಾರದ ಮುಂದಿರುವುದಿಲ್ಲ. ಮಂಗಳೂರಿನ ಮಂಗಳಾ ಕ್ರೀಡಾಂಗಣದಲ್ಲಿ ಕ್ರೀಡಾಪಟುಗಳಿಗೆ ಅಥ್ಲೆಟಿಕ್ಸ್, ವಾಲಿಬಾಲ್, ಭಾರ ಎತ್ತುವುದು, ಬ್ಯಾಡ್ಮಿಂಟನ್, ಬಾಸ್ಕೆಟ್‌ಬಾಲ್, ಸ್ಕೇಟಿಂಗ್, ಕಬಡ್ಡಿ ಮೊದಲಾದ ಕ್ರೀಡೆಗಳಲ್ಲಿ ತರಬೇತಿಯನ್ನು ನೀಡಲಾಗುತ್ತಿದೆ. |

ಸಂಖ್ಯೆ: ಯುಸೇಇ 96 ಯುಸೇಭಾ 2018.

(ಡಾ|| ಜಿ. ಪರಮೇಶ್ವರ)
ಉಪ ಮುಖ್ಯಮಂತ್ರಿ.